ಸದನದಲ್ಲಿ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತಮೂರನೆಯ ಅಧಿವೇಶನ

ಗುರುವಾರ, ದಿನಾಂಕ: 4ನೇ ಫೆಬ್ರುವರಿ, 2021

ಬೆಂಗಳೂರು ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿ ತ್ಯಾಜ್ಯದ ರಾಶಿಯನ್ನು ತೆರವುಗೊಳಿಸುವ ಬಗ್ಗೆ

ಶ್ರೀ ಬಿ.ಕೆ. ಹರಿಪ್ರಸಾದ್ (ವಿಧಾನಸಭೆಯಿಂದ ಚುನಾಯಿತರಾದವರು) -

63(433) ಮುಖ್ಯಮಂತ್ರಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿ ರಸ್ತೆಯ ಎರಡು ಬದಿಯಲ್ಲಿ ಅಲ್ಲಲ್ಲಿ ತ್ಯಾಜ್ಯದ ರಾಶಿ ಬಿದ್ದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಇದರಿಂದ ನಗರದ ಸಾರ್ವಜನಿಕರ ಆರೋಗ್ಯಕ್ಕೆ ಹಾನಿ ಉಂಟಾಗಿ ಪರಿಸರದ ಮೇಲೆ ವ್ಯತಿರಿಕ್ತ ಪರಿಣಾಮ ಉಂಟಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಇ) ಕೂಡಲೇ ಈ ತ್ಯಾಜ್ಯದ ರಾಶಿಯನ್ನು ತೆಗೆದು ಸ್ವಚ್ಛಗೊಳಿಸಿ ಪರಿಸರ ನೈರ್ಮಲ್ಯಕ್ಕೆ, ನಗರದ ಅಂದಕ್ಕೆ ಗಮನ ಕೊಡಲು ಸರ್ಕಾರ ಕ್ರಮ ಕೈಗೊಳ್ಳುವುದೇ;

(ಈ) ಸಿ.ಸಿ. ಕ್ಯಾಮರಗಳನ್ನು ಅಳವಡಿಸಿ ತ್ಯಾಜ್ಯವನ್ನು ಸುರಿಯುವವರನ್ನು ಪತ್ತೆ ಹಚ್ಚಿ ಅವರಿಗೆ ದಂಡ ವಿಧಿಸಲು ಸರ್ಕಾರ ಕ್ರಮ ಕೈಗೊಂಡಿದೆಯೇ ?